ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಗುರುವಾರ, ದಿನಾಂಕ : 24 ನೇ ಸೆಪ್ಟೆಂಬರ್, 2020

ನವದೆಹಲಿಯ ಕರ್ನಾಟಕ ಭವನದ ಬಗ್ಗೆ

ಶ್ರೀ ಎಂ. ನಾರಾಯಣಸ್ವಾಮಿ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) –

51 (603) ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ನವದೆಹಲಿಯ ಕರ್ನಾಟಕ ಭವನದಲ್ಲಿ 1995 ರಿಂದ ಕೆಲಸ ನಿರ್ವಹಿಸುತ್ತಿರುವ ನೌಕರರನ್ನು ಕೆಲಸದಿಂದ ತೆಗೆದುಹಾಕಲು ಕಾರಣವೇನು;

(ಆ) ಕರ್ನಾಟಕ ಭವನದಲ್ಲಿ ಕೆಲಸ ಮಾಡುತ್ತಿರುವ ಅಧಿಕಾರಿಗಳ ಸಂಖ್ಯೆ ಎಷ್ಟು; ಅಷ್ಟು ಅಧಿಕಾರಿಗಳ ಅವಶ್ಯಕತೆ ಇದೆಯೇ;

(ಇ) ಕರ್ನಾಟಕ ಭವನದಲ್ಲಿ ವಾಸವಿರುವ ಸಿಬ್ಬಂದಿಗಳನ್ನು ಏಕಾಏಕಿ ತೆಗೆದು ಹಾಕಿರುವುದರಿಂದ ಮಕ್ಕಳ ವಿದ್ಯಾಭ್ಯಾಸಕ್ಕೆ ತೊಂದರೆಯಾಗುವುದಿಲ್ಲವೇ;

(ಈ) ಕರ್ನಾಟಕ ಭವನದಲ್ಲಿ ರಾತ್ರಿ ಹಗಲು ನಿರಂತರವಾಗಿ ಅಗತ್ಯ ಸೇವೆಯನ್ನು ಮಾಡುತ್ತಿರುವ ಸಿಬ್ಬಂದಿಗಳನ್ನು ತೆಗೆದುಹಾಕಿರುವುದರಿಂದ ಅತಿಥಿಗಳಿಗೆ ತೊಂದರೆಯಾಗುವುದಿಲ್ಲವೆ?